ಸದನದಲ್ಲಿ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 09ನೇ ಮಾರ್ಚ್, 2020

ರಾಜ್ಯದಲ್ಲಿ ಇರುವ ಒಟ್ಟು ಸರ್ಕಾರಿ ಆಸ್ಪತ್ರೆ ಮತ್ತು ಸಿಬ್ಬಂದಿಗಳ ಸಂಖ್ಯೆಗಳನ್ನು ಕುರಿತು

ಶ್ರೀ ಹೆಚ್.ಎಂ. ರಮೇಶಗೌಡ (ವಿಧಾನಸಭೆಯಿಂದ ಚುನಾಯಿತರಾದವರು)

71 (540) ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ಕರ್ನಾಟಕ ರಾಜ್ಯದಲ್ಲಿರುವ ಒಟ್ಟು ಸರ್ಕಾರಿ ಆಸ್ಪತ್ರೆಗಳೆಷ್ಟು ; ಹಾಗೂ ಸಿಬ್ಬಂದಿ ವರ್ಗದವರ ಒಟ್ಟು ಅಂದಾಜು ಎಷ್ಟು ;

(ಆ) ರಾಜ್ಯದಲ್ಲಿರುವ ಸರ್ಕಾರಿ ಆಸ್ಪತ್ರೆಗಳಲ್ಲಿ ಮೂಲ ಸೌಲಭ್ಯಗಳು ಲಭ್ಯವಿದೆಯೇ; ಹಾಗಿದ್ದಲ್ಲಿ, ಜನರು ಖಾಸಗಿ ಆಸ್ಪತ್ರೆಗಳಲ್ಲಿ ಚಿಕಿತ್ಸೆ ಪಡೆಯಲು ಕಾರಣವೇನು; (ಮಾಹಿತಿ ನೀಡುವುದು)

(ಇ) ಸರ್ಕಾರಿ ಆಸ್ಪತ್ರೆಗಳಲ್ಲಿ ಸಮಯಕ್ಕೆ ಸರಿಯಾಗಿ ಸಿಬ್ಬಂದಿಗಳು ಸಿಗುವುದಿಲ್ಲ ಎಂಬ ದೂರುಗಳಿಗೆ ಸರ್ಕಾರ ಕೈಗೊಂಡ ಶಿಸ್ತು ಕ್ರಮಗಳೇನು ;

(ಈ) ಅನೇಕ ಆಸ್ಪತ್ರೆಗಳಲ್ಲಿ ಲಸಿಕೆಗಳನ್ನು ತಪ್ಪಾಗಿ ನೀಡುವುದರಿಂದ ಜನರು ಮರಣ ಹೊಂದುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಹಾಗಿದ್ದಲ್ಲಿ, ಬೇಜವಾಬ್ದಾರಿಯಾಗಿ ನಡೆದುಕೊಳ್ಳದಂತೆ ಸರ್ಕಾರದಿಂದ ಯಾವ ರೀತಿಯ ಸೂಚನೆಗಳನ್ನು ಆಸ್ಪತ್ರೆಯ ಸಿಬ್ಬಂದಿಗಳಿಗೆ ನೀಡಲಾಗಿದೆ ;

(ಉ) ಜಿಲ್ಲಾ ಆರೋಗ್ಯಾಧಿಕಾರಿಗಳು ಪ್ರತಿ ವಾರಕ್ಕೊಮ್ಮೆ ಒಂದು ಅಥವಾ ಎರಡು ದಿನ ತಮ್ಮ ಜಿಲ್ಲಾ ವ್ಯಾಪ್ತಿಯ ಆಸ್ಪತ್ರೆಗಳಲ್ಲಿ ಕುಂದು ಕೊರತೆಗಳಿಗೆ ಮೀಸಲಿರಿಸುತ್ತಿದ್ದಾರೆಯೇ ; ಹಾಗಿದ್ದಲ್ಲಿ, ಸರ್ಕಾರಿ ಆಸ್ಪತ್ರೆಗಳ ಬಗ್ಗೆ ಜನರ ಅಸಡ್ಡೆ ಯಾಕೆ ; ಸರ್ಕಾರಿ ಆಸ್ಪತ್ರೆಗಳಿಗೆ ಮೂಲ ಸೌಕರ್ಯಗಳ ಜೊತೆಗೆ, ಮುಂದುವರೆದ ಚಿಕಿತ್ಸೆಯನ್ನು ನೀಡುವ ಯೋಜನೆಗಳನ್ನು ತರಲು ಸರ್ಕಾರಕ್ಕೆ ಇರುವ ಸಮಸ್ಯೆ ಏನು ?